

# ಕರ್ನಾಟಕ ವಿಧಾನ ಪರಿಷತ್ತು

1. ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 07 (42)
2. ಸದಸ್ಯರ ಹೆಸರು : ಶ್ರೀ ಪ್ರಕಾಶ್ ಕೆ.ರಾಥೋಡ್
3. ಉತ್ತರಿಸಬೇಕಾದ ದಿನಾಂಕ : 02.03.2020
4. ಉತ್ತರಿಸಬೇಕಾದ ಸಚಿವರು : ವೈದ್ಯಕೀಯ ಶಿಕ್ಷಣ ಸಚಿವರು

| | ಪ್ರಶ್ನೆಗಳು | ಉತ್ತರಗಳು |
|---|---|---|
| ಅ) | ಕರ್ನಾಟಕದ ಪ್ರತಿ ಜಿಲ್ಲೆಯಲ್ಲಿ ಸರ್ಕಾರಿ ವೈದ್ಯಕೀಯ ಕಾಲೇಜುಗಳನ್ನು ಪ್ರಾರಂಭಿಸಲಾಗುವುದೆ; | ರಾಜ್ಯದಲ್ಲಿ ಕೆಳಕಂಡಂತೆ ಒಟ್ಟು 17 ವೈದ್ಯಕೀಯ ಕಾಲೇಜುಗಳು ಈಗಾಗಲೇ ಕಾರ್ಯನಿರ್ವಹಿಸುತ್ತಿವೆ:<br>1) ಬೆಂಗಳೂರು ವೈದ್ಯಕೀಯ ಕಾಲೇಜು ಮತ್ತು ಸಂಶೋಧನಾ ಸಂಸ್ಥೆ, ಬೆಂಗಳೂರು.<br>2) ಬೌರಿಂಗ್ ಮತ್ತು ಲೇಡಿ ಕರ್ಜನ್ ವೈದ್ಯಕೀಯ ಮಹಾವಿದ್ಯಾಲಯ ಮತ್ತು ಸಂಶೋಧನಾ ಸಂಸ್ಥೆ, ಬೆಂಗಳೂರು.<br>3) ಮೈಸೂರು ವೈದ್ಯಕೀಯ ಕಾಲೇಜು ಮತ್ತು ಸಂಶೋಧನಾ ಸಂಸ್ಥೆ, ಮೈಸೂರು.<br>4) ಕರ್ನಾಟಕ ವೈದ್ಯಕೀಯ ವಿಜ್ಞಾನಗಳ ಸಂಸ್ಥೆ (ಕಿಮ್ಸ್), ಹುಬ್ಬಳ್ಳಿ.<br>5) ವಿಜಯನಗರ ವೈದ್ಯಕೀಯ ವಿಜ್ಞಾನಗಳ ಸಂಸ್ಥೆ, ಬಳ್ಳಾರಿ.<br>6) ಮಂಡ್ಯ ವೈದ್ಯಕೀಯ ವಿಜ್ಞಾನಗಳ ಸಂಸ್ಥೆ, ಮಂಡ್ಯ.<br>7) ಹಾಸನ ವೈದ್ಯಕೀಯ ವಿಜ್ಞಾನಗಳ ಸಂಸ್ಥೆ, ಹಾಸನ.<br>8) ಶಿವಮೊಗ್ಗ ವೈದ್ಯಕೀಯ ವಿಜ್ಞಾನಗಳ ಸಂಸ್ಥೆ, ಶಿವಮೊಗ್ಗ.<br>9) ಬೀದರ್ ವೈದ್ಯಕೀಯ ವಿಜ್ಞಾನಗಳ ಸಂಸ್ಥೆ, ಬೀದರ್.<br>10) ರಾಯಚೂರು ವೈದ್ಯಕೀಯ ವಿಜ್ಞಾನಗಳ ಸಂಸ್ಥೆ, ರಾಯಚೂರು.<br>11) ಬೆಳಗಾವಿ ವೈದ್ಯಕೀಯ ವಿಜ್ಞಾನಗಳ ಸಂಸ್ಥೆ, ಬೆಳಗಾವಿ.<br>12) ಚಾಮರಾಜನಗರ ವೈದ್ಯಕೀಯ ವಿಜ್ಞಾನಗಳ ಸಂಸ್ಥೆ, ಚಾಮರಾಜನಗರ. |
| ಆ) | ಹಾಗಿದ್ದಲ್ಲಿ, ಯಾವ ಯಾವ ಜಿಲ್ಲೆಗಳಲ್ಲಿ ಸರ್ಕಾರಿ ವೈದ್ಯಕೀಯ ಕಾಲೇಜನ್ನು ಪ್ರಾರಂಭಿಸಲಾಗಿದೆ: (ವಿವರ ನೀಡುವುದು) | |
| ಇ) | ವಿಜಯಪುರ ಜಿಲ್ಲೆಯಲ್ಲಿ ಸರ್ಕಾರಿ ವೈದ್ಯಕೀಯ ಕಾಲೇಜನ್ನು ಪ್ರಾರಂಭಿಸುವುದು ಯಾವಾಗ? | |

| | | |
|---|---|---|
| | | 13) ಕೊಡಗು ವೈದ್ಯಕೀಯ ವಿಜ್ಞಾನಗಳ ಸಂಸ್ಥೆ, ಮಡಿಕೇರಿ.<br>14) ಕೊಪ್ಪಳ ವೈದ್ಯಕೀಯ ವಿಜ್ಞಾನಗಳ ಸಂಸ್ಥೆ, ಕೊಪ್ಪಳ.<br>15) ಕಾರವಾರ ವೈದ್ಯಕೀಯ ವಿಜ್ಞಾನಗಳ ಸಂಸ್ಥೆ, ಕಾರವಾರ.<br>16) ಗದಗ ವೈದ್ಯಕೀಯ ವಿಜ್ಞಾನಗಳ ಸಂಸ್ಥೆ, ಗದಗ.<br>17) ಗುಲ್ಬರ್ಗಾ ವೈದ್ಯಕೀಯ ವಿಜ್ಞಾನಗಳ ಸಂಸ್ಥೆ, ಕಲಬುರಗಿ.<br><br>2019-20 ನೇ ಸಾಲಿನಲ್ಲಿ ಕೇಂದ್ರ ಸರ್ಕಾರದ ಯೋಜನೆಯನ್ವಯ ಸರ್ಕಾರಿ / ಖಾಸಗಿ ವೈದ್ಯಕೀಯ ಕಾಲೇಜುಗಳಿರದ ಜಿಲ್ಲೆಗಳಲ್ಲಿ ಸರ್ಕಾರಿ ವೈದ್ಯಕೀಯ ಕಾಲೇಜುಗಳನ್ನು ಪ್ರಾರಂಭಿಸಲು ಅವಕಾಶವಿದ್ದು, ಈ ಯೋಜನೆ ಅಡಿ ಕೇಂದ್ರ ಹಾಗೂ ರಾಜ್ಯ ಸರ್ಕಾರದ ಪಾಲು ಶೇ.60:40 ರ ಅನುಪಾತದಲ್ಲಿ ಒಟ್ಟು ರೂ.325.00 ಕೋಟಿಗಳ ಅನುದಾನ ಲಭ್ಯವಾಗಲಿದೆ.<br><br>ಈ ಯೋಜನೆ ಅಡಿ 2019-20 ನೇ ಸಾಲಿನಲ್ಲಿ ಹಾವೇರಿ, ಯಾದಗಿರಿ, ಚಿಕ್ಕಮಗಳೂರು ಹಾಗೂ ಚಿಕ್ಕಬಳ್ಳಾಪುರ ಜಿಲ್ಲೆಗಳಲ್ಲಿ ಸರ್ಕಾರಿ ವೈದ್ಯಕೀಯ ಕಾಲೇಜುಗಳನ್ನು ಪ್ರಾರಂಭಿಸಲು ಕ್ರಮವಹಿಸಲಾಗಿದೆ.<br><br>ರಾಮನಗರ ಜಿಲ್ಲೆಯು ಯಾವುದೇ ಸರ್ಕಾರಿ / ಖಾಸಗಿ ವೈದ್ಯಕೀಯ ಕಾಲೇಜುಗಳಿರದ ಏಕೈಕ ಜಿಲ್ಲೆಯಾಗಿರುತ್ತದೆ. ರಾಮನಗರದಲ್ಲಿ ರಾಜೀವ್‌ಗಾಂಧಿ ಆರೋಗ್ಯ ವಿಜ್ಞಾನಗಳ ವಿಶ್ವವಿದ್ಯಾಲಯವನ್ನು ಸ್ಥಾಪಿಸಲು ಉದ್ದೇಶಿಸಲಾಗಿದ್ದು, ಇದರೊಂದಿಗೆ "ಆರೋಗ್ಯ ನಗರವನ್ನು" (Health city) ಸ್ಥಾಪಿಸುವ ಯೋಜನೆ ರೂಪಿಸಲಾಗಿದ್ದು, ವೈದ್ಯಕೀಯ ಕಾಲೇಜಿನ ಸ್ಥಾಪನೆಯು ಸಹ ಈ ಯೋಜನೆಯ ಭಾಗವಾಗಿರುತ್ತದೆ.<br><br>ಇನ್ನುಳಿದಂತೆ ತುಮಕೂರು, ದಾವಣಗೆರೆ, ಚಿತ್ರದುರ್ಗ, ಬಾಗಲಕೋಟೆ, ಕೋಲಾರ, ದಕ್ಷಿಣ ಕನ್ನಡ, ಉಡುಪಿ, ಬೆಂಗಳೂರು ಗ್ರಾಮಾಂತರ ಮತ್ತು ವಿಜಯಪುರ ಇಲ್ಲಿ ಈಗಾಗಲೇ ಖಾಸಗಿ ವೈದ್ಯಕೀಯ ಕಾಲೇಜುಗಳು ಕಾರ್ಯ |

| | | |
|---|---|---|
| | | ನಿರ್ವಹಿಸುತ್ತಿರುವುದರಿಂದ, ಈ ಜಿಲ್ಲೆಗಳಲ್ಲಿ ವೈದ್ಯಕೀಯ ಕಾಲೇಜುಗಳನ್ನು ಸ್ಥಾಪಿಸುವುದು ಕೇಂದ್ರ ಸರ್ಕಾರದ ಯೋಜನೆಯ ವ್ಯಾಪ್ತಿಗೆ ಒಳಪಡುವುದಿಲ್ಲ.<br><br>ರಾಜ್ಯ ಸರ್ಕಾರದ ವತಿಯಿಂದ ಹೊಸ ಸರ್ಕಾರಿ ವೈದ್ಯಕೀಯ ಕಾಲೇಜನ್ನು ಸ್ಥಾಪಿಸಲು ಅಂದಾಜು ರೂ.525.00 ಕೋಟಿಗಳ ಅನಾವರ್ತಕ ವೆಚ್ಚ ಹಾಗೂ ರೂ.42.75 ಕೋಟಿಗಳ ಆವರ್ತಕ ವೆಚ್ಚದ ಅವಶ್ಯಕತೆ ಇರುತ್ತದೆ.<br><br>ಪ್ರಸ್ತುತ ಅನುದಾನದ ಕೊರತೆಯ ಹಿನ್ನೆಲೆಯಲ್ಲಿ, ರಾಜ್ಯ ಸರ್ಕಾರದ ವತಿಯಿಂದಲೇ ಹೊಸ ವೈದ್ಯಕೀಯ ಕಾಲೇಜುಗಳನ್ನು ಸ್ಥಾಪಿಸುವ ಯಾವುದೇ ಪ್ರಸ್ತಾವನೆಗಳು ಸರ್ಕಾರದ ಪರಿಶೀಲನೆಯಲ್ಲಿರುವುದಿಲ್ಲ. |

ಎಂಇಡಿ 133 ಎಂಎಂಸಿ 2020

(ಡಾ:ಕೆ.ಸುಧಾಕರ್)

ವೈದ್ಯಕೀಯ ಶಿಕ್ಷಣ ಸಚಿವರು